ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೆರಡನೆಯ ಅಧಿವೇಶನ

ಮಂಗಳವಾರ, ದಿನಾಂಕ : 08 ನೇ ಡಿಸೆಂಬರ್, 2020

ಅನ್ನಭಾಗ್ಯ ಯೋಜನೆ ಕುರಿತು

ಶ್ರೀ ಎನ್.ರವಿಕುಮಾರ್ (ವಿಧಾನಸಭಾ ಕ್ಷೇತ್ರದಿಂದ ಚುನಾಯಿತರಾದವರು):-

156 (187) ಮಾನ್ಯ ಆಹಾರ ಮತ್ತು ನಾಗರಿಕ ಸರಬರಾಜು ಹಾಗೂ ಗ್ರಾಹಕರ ವ್ಯವಹಾರಗಳ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಅನ್ನಭಾಗ್ಯ ಯೋಜನೆಯಡಿಯಲ್ಲಿ ಕಳೆದ 6 ತಿಂಗಳಿನಲ್ಲಿ ಬಿಪಿಎಲ್, ಎಪಿಎಲ್ ಮತ್ತು ಅಂತ್ಯೋದಯ ಕಾರ್ಡುದಾರರಿಗೆ ವಿತರಿಸಿದ ಅಕ್ಕಿಯ ಪ್ರಮಾಣ ಎಷ್ಟು; (ಜಿಲ್ಲಾವಾರು ಮಾಹಿತಿ ನೀಡುವುದು)

(ಆ) ರಾಜ್ಯದಲ್ಲಿ ಎಷ್ಟು ಎಪಿಎಲ್, ಬಿಪಿಎಲ್ ಮತ್ತು ಅಂತ್ಯೋದಯ ಕಾರ್ಡುಗಳಿವೆ; ಎಪಿಎಲ್, ಬಿಪಿಎಲ್ ಮತ್ತು ಅಂತ್ಯೋದಯ ಕಾರ್ಡ್ ಹೊಂದಿದವರಿಗೆ ವಿತರಿಸಲಾಗುವ ತಲಾ ಅಕ್ಕಿಯ ಪ್ರಮಾಣವೆಷ್ಟು; ರಾಜ್ಯದಲ್ಲಿರುವ ಒಟ್ಟು ಕುಟುಂಬಗಳ ಸಂಖ್ಯೆ ಎಷ್ಟು; (ಜಿಲ್ಲಾವಾರು ಮಾಹಿತಿ ನೀಡುವುದು)

(ಇ) ಪ್ರತಿ ತಿಂಗಳು ವಿತರಿಸದಿರುವ ಅಕ್ಕಿಯನ್ನು ಯಾವ ರೀತಿಯಾಗಿ ಬಳಸಿಕೊಳ್ಳಲಾಗುತ್ತಿದೆ; ಬಡವರಿಗೆ ಸರ್ಕಾರವು ನೀಡುವ ಅಕ್ಕಿಯನ್ನು ನ್ಯಾಯಬೆಲೆ ಅಂಗಡಿಯ ಮಾಲೀಕರು ಬಡವರಿಗೆ ವಿತರಿಸದೆ ವಿತರಿಸಿದೆಯೆಂದು ಸರ್ಕಾರಕ್ಕೆ ಸುಳ್ಳು ಲೆಕ್ಕ ತೋರಿಸುವ ಮೂಲಕ ವಂಚಿಸುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಈ ರೀತಿಯಾಗಿ ವಂಚಿಸುತ್ತಿರುವ ನ್ಯಾಯಬೆಲೆ ಅಂಗಡಿಯ ಮಾಲೀಕರ ಮೇಲೆ ಯಾವ ಕ್ರಮ ಕೈಗೊಳ್ಳಲಾಗಿದೆ; ಕಳೆದ 6 ತಿಂಗಳಿನಲ್ಲಿ ಈ ರೀತಿಯ ಎಷ್ಟು ಪ್ರಕರಣಗಳು ದಾಖಲಾಗಿವೆ;

(ಈ) ಸರ್ಕಾರವು ಕಳೆದ 6 ತಿಂಗಳಿನಲ್ಲಿ ಬಡವರಿಗೆ ಕಡಿಮೆ ದರದಲ್ಲಿ ಅಥವಾ ಉಚಿತವಾಗಿ ಅಕ್ಕಿಯನ್ನು ವಿತರಿಸಲು ಎಷ್ಟು ವೆಚ್ಚ ಮಾಡಿದೆ? (ತಿಂಗಳುವಾರು ವಿವರ ನೀಡುವುದು)